ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ರಾಜ್ಯದ ಮಕ್ಕಳ ಅಪೌಷ್ಠಿಕತೆಯಿಂದ ಬಳಲುತ್ತಿರುವ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

310 (466) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಜ್ಯದ ಮಕ್ಕಳಲ್ಲಿ ಅಪೌಷ್ಠಿಕತೆ ಪ್ರಮಾಣ ಹೆಚ್ಚಾಗಿ ಮಕ್ಕಳು ಅನಾರೋಗ್ಯಪೀಡಿತರಾಗುತ್ತಿದ್ದು, ಸದ್ಯದ ಪರಿಸ್ಥಿತಿಯಲ್ಲಿ ಶೇ. 60-ರಷ್ಟು ಮಕ್ಕಳು ಅಪೌಷ್ಠಿಕತೆಯಿಂದ ಬಳಲುತ್ತಿದ್ದಾರೆಂಬ ಆತಂಕಕಾರಿ ವಿಷಯ ಪತ್ರಿಕೆಗಳಲ್ಲಿ ವರದಿಯಾಗಿದ್ದು, ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಮಕ್ಕಳು ಅಪೌಷ್ಠಿಕತೆಯಿಂದ ಬಳಲುತ್ತಿರುವುದಕ್ಕೆ ಮೂಲ ಕಾರಣವೇನು ;

(ಇ) ರಾಜ್ಯದಲ್ಲಿ ಎಷ್ಟು ಮಕ್ಕಳು ಅಪೌಷ್ಠಿಕತೆಯಿಂದ ಬಳಲುತ್ತಿದ್ದಾರೆ ; (ಜಿಲ್ಲಾವಾರು ಮಾಹಿತಿ ನೀಡುವುದು)

(ಈ) ರಾಜ್ಯದ ಮಕ್ಕಳಲ್ಲಿರುವ ಅಪೌಷ್ಠಿಕತೆಯನ್ನು ನಿವಾರಿಸಲು ಸರ್ಕಾರ ಇದುವರೆಗೂ ಯಾವ ಕ್ರಮ ಕೈಗೊಂಡಿದೆ ;

(ಉ) ಅಪೌಷ್ಠಿಕತೆಯನ್ನು ಸಂಪೂರ್ಣವಾಗಿ ತೊರೆದುಹಾಕುವ ನಿಟ್ಟಿನಲ್ಲಿ ಸರ್ಕಾರದ ಮುಂದಿರುವ ಯೋಜನೆಗಳೇನು ? (ಸಂಪೂರ್ಣ ವಿವರ ಒದಗಿಸುವುದು)